

# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| 1 | ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 98 |
| 2 | ಸದಸ್ಯರ ಹೆಸರು | ಶ್ರೀ ಜಿ. ರಘು ಆಚಾರ್ |
| 3 | ಉತ್ತರಿಸಬೇಕಾದ ದಿನಾಂಕ | 21/09/2020 |
| 4 | ಉತ್ತರಿಸಬೇಕಾದ ಸಚಿವರು | ವೈದ್ಯಕೀಯ ಶಿಕ್ಷಣ ಸಚಿವರು |

| ಕ್ರ.ಸಂ | ಪ್ರಶ್ನೆಗಳು | ಉತ್ತರಗಳು |
|---|---|---|
| ಅ) | ಚಿತ್ರದುರ್ಗ ಜಿಲ್ಲೆಯಲ್ಲಿ ಸರ್ಕಾರಿ ವೈದ್ಯಕೀಯ ಕಾಲೇಜು ಸ್ಥಾಪಿಸುವ ಪ್ರಸ್ತಾವ ಯಾವ ಹಂತದಲ್ಲಿದೆ; (ವಿವರ ನೀಡುವುದು) | 2013-14 ನೇ ಸಾಲಿನ ಆಯವ್ಯಯ ಘೋಷಣೆಯಲ್ಲಿ ಚಿತ್ರದುರ್ಗದಲ್ಲಿ ಹೊಸ ವೈದ್ಯಕೀಯ ಕಾಲೇಜನ್ನು ಪ್ರಾರಂಭಿಸಲು ಪ್ರಸ್ತಾಪಿಸಲಾಗಿದ್ದು, ಸರ್ಕಾರದ ಆದೇಶ ಸಂಖ್ಯೆ ಆಕುಕ 172 ಎಂಪಿಎಸ್ 2014 ದಿನಾಂಕ 12/06/2014 ರಲ್ಲಿ ಸದರಿ ವೈದ್ಯಕೀಯ ಕಾಲೇಜಿನ ಸ್ಥಾಪನೆಗೆ ಮಂಜೂರಾತಿ ನೀಡಲಾಗಿದೆ.<br><br>ಆದರೆ ಆರ್ಥಿಕ ಮಿತವ್ಯಯದ ಕಾರಣದಿಂದಾಗಿ ಆಯವ್ಯಯ ಘೋಷಣೆಯಂತೆ ಸದರಿ ಆರ್ಥಿಕ ವರ್ಷದಲ್ಲಿ ವೈದ್ಯಕೀಯ ಕಾಲೇಜನ್ನು ಪ್ರಾರಂಭಿಸಲಾಗಿರುವುದಿಲ್ಲ.<br><br>ಮುಂದುವರೆದು ಕೇಂದ್ರ ಸರ್ಕಾರದ ಯೋಜನೆಯನ್ವಯ ಸರ್ಕಾರಿ/ಖಾಸಗಿ ವೈದ್ಯಕೀಯ ಕಾಲೇಜುಗಳಿರದ ಜಿಲ್ಲೆಗಳಲ್ಲಿ ಸರ್ಕಾರಿ ವೈದ್ಯಕೀಯ ಕಾಲೇಜುಗಳನ್ನು ಪ್ರಾರಂಭಿಸಲು ಅವಕಾಶವಿರುತ್ತದೆ. ಚಿತ್ರದುರ್ಗ ಜಿಲ್ಲೆಯಲ್ಲಿ ಈಗಾಗಲೇ ಖಾಸಗಿ ವೈದ್ಯಕೀಯ ಕಾಲೇಜು ಕಾರ್ಯ ನಿರ್ವಹಿಸುತ್ತಿರುವುದರಿಂದ ಈ ಜಿಲ್ಲೆಯಲ್ಲಿ ವೈದ್ಯಕೀಯ ಕಾಲೇಜನ್ನು ಸ್ಥಾಪಿಸುವುದು ಕೇಂದ್ರ ಸರ್ಕಾರದ ಯೋಜನೆಯ ವ್ಯಾಪ್ತಿಗೆ ಒಳಪಡುವುದಿಲ್ಲ.<br><br>ರಾಜ್ಯ ಸರ್ಕಾರದ ವತಿಯಿಂದ ಹೊಸ ವೈದ್ಯಕೀಯ ಕಾಲೇಜನ್ನು ಸ್ಥಾಪಿಸಲು ಅಂದಾಜು ರೂ.610.00 ಕೋಟಿಗಳ ಅನಾವರ್ತಕ ವೆಚ್ಚ ಹಾಗೂ ವಾರ್ಷಿಕ ರೂ.60.00 ಕೋಟಿಗಳ ಆವರ್ತಕ ವೆಚ್ಚದ ಅವಶ್ಯಕತೆ ಇರುತ್ತದೆ.<br><br>ಪ್ರಸ್ತುತ ಅನುದಾನದ ಕೊರತೆಯ ಹಿನ್ನೆಲೆಯಲ್ಲಿ ರಾಜ್ಯ ಸರ್ಕಾರದ ವತಿಯಿಂದಲೇ ಪೂರ್ಣ ವೆಚ್ಚ ಭರಿಸಿ, ಹೊಸ ವೈದ್ಯಕೀಯ ಕಾಲೇಜುಗಳನ್ನು ಸ್ಥಾಪಿಸುವ ಯಾವುದೇ ಪ್ರಸ್ತಾವನೆಗಳು ಸರ್ಕಾರದ ಪರಿಶೀಲನೆಯಲ್ಲಿರುವುದಿಲ್ಲ. |
| ಆ) | ಸರ್ಕಾರಿ ವೈದ್ಯಕೀಯ ಕಾಲೇಜು ಸ್ಥಾಪನೆಗೆ ವಿಳಂಬ ಆಗುತ್ತಿರಲು ಕಾರಣವೇನು? (ಮಾಹಿತಿ ಒದಗಿಸುವುದು) | |

ಸಂಖ್ಯೆ: ಎಂಇಡಿ 463 ಎಂಎಂಸಿ 2020

(ಡಾ|| ಕೆ. ಸುಧಾಕರ್)
ವೈದ್ಯಕೀಯ ಶಿಕ್ಷಣ ಸಚಿವರು